ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಸೋಮವಾರ, ದಿನಾಂಕ : 28 ನೇ ಸೆಪ್ಟೆಂಬರ್, 2020

ಸಂಯುಕ್ತ ಪದವಿಪೂರ್ವ ಕಾಲೇಜಿನ ಉಪ ಪ್ರಾಂಶುಪಾಲರ ಹುದ್ದೆ ಭರ್ತಿ ಬಗ್ಗೆ

ಶ್ರೀ ಮರಿತಿಬ್ಬೇಗೌಡ (ಶಿಕ್ಷಕರ ಕ್ಷೇತ್ರ) :-

794 (973) ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) 450 ವಿದ್ಯಾರ್ಥಿಗಳಿರುವ ಸಂಯುಕ್ತ ಪದವಿಪೂರ್ವ ಕಾಲೇಜುಗಳಲ್ಲಿ ಉಪ ಪ್ರಾಂಶುಪಾಲರ ಹುದ್ದೆಗಳನ್ನು ಸೃಜಿಸಲು ಸರ್ಕಾರ ಕ್ರಮ ಕೈಗೊಳ್ಳುವುದೇ ;

(ಆ) ಉಪ ಪ್ರಾಂಶುಪಾಲರ ಹುದ್ದೆ ಇಲ್ಲದೇ ಇರುವ ಸಂಯುಕ್ತÀ ಪದವಿ ಪೂರ್ವ ಕಾಲೇಜುಗಳ ಪ್ರೌಢಶಾಲಾ ವಿಭಾಗದಲ್ಲಿ ಆಡಳಿತ ನಿರ್ವಹಣೆಗೆÀ ತುಂಬಾ ಅಡ್ಡಿ ಉಂಟಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಇ) ಪ್ರತಿ ಸರ್ಕಾರಿ ಸಂಯುಕ್ತ ಪದವಿಪೂರ್ವ ಕಾಲೇಜುಗಳಲ್ಲಿ ಉಪ ಪ್ರಾಂಶುಪಾಲರ ಹುದ್ದೆಯನ್ನು ಸೃಜಿಸದಿರಲು ಇರುವ ಕಾನೂನಿನ ತೊಡಕುಗಳೇನು ; (ವಿವರ ನೀಡುವುದು)

(ಈ) ಸರ್ಕಾರಿ ಸಂಯುಕ್ತ ಪದವಿಪೂರ್ವ ಕಾಲೇಜುಗಳಲ್ಲಿ ಪ್ರೌಢಶಾಲಾ ವಿಭಾಗದಲ್ಲಿ ಹಿರಿಯ ಶಿಕ್ಷಕರು ಪ್ರಭಾರಿ ಮುಖ್ಯ ಶಿಕ್ಷಕರ ಹುದ್ದೆಯಲ್ಲಿ ಕಾರ್ಯನಿರ್ವಹಿಸುತ್ತಿದ್ದು, ಇವರಿಗೆ ಪ್ರಭಾರ ಭತ್ಯೆಯನ್ನು ನೀಡದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಉ) ಹಾಗಿದ್ದಲ್ಲಿ, ಪ್ರಭಾರ ಭತ್ಯೆಯನ್ನು ನೀಡಲು ಸರ್ಕಾರ ಇದುವರೆಗೆ ತೆಗೆದುಕೊಂಡ ಕ್ರಮಗಳೇನು ?